


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ಗುರುತಿನ ಪ್ರಶ್ನೆ**

ದಿನಾಂಕ : 24-03-2021 ಪ್ರಶ್ನೆ ಸಂಖ್ಯೆ : 276 (1984)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 24-03-2021

ಉತ್ತರಿಸುವ ಸಚಿವರು: ಉಪ ಮುಖ್ಯಮಂತ್ರಿಗಳು ಹಾಗೂ ಲೋಕೋಪಯೋಗಿ ಸಚಿವರು

ವಿಷಯ : ಲೋಕೋಪಯೋಗಿ ಇಲಾಖೆಯಿಂದ ಕೈಗೊಂಡಿರುವ ಕಾಮಗಾರಿಗಳ ಬಗ್ಗೆ

(ಅ) ಕಳೆದ 3 ವರ್ಷಗಳಿಂದ ಲೋಕೋಪಯೋಗಿ ಇಲಾಖೆಯಿಂದ ಹಾಸನ ಜಿಲ್ಲೆಯಲ್ಲಿ ಕೈಗೊಂಡಿರುವ ಕಾಮಗಾರಿಗಳು ಯಾವುವು; ಈ ಕಾಮಗಾರಿಗಳು ಯಾವ ಹಂತದಲ್ಲಿವೆ; ಈ ಕಾಮಗಾರಿಗಳಿಗಾಗಿ ಮಂಜೂರಾದ ಹಾಗೂ ಬಿಡುಗಡೆಯಾಗಿರುವ ಅನುದಾನವೆಷ್ಟು; ಇದರಲ್ಲಿ ಗುತ್ತಿಗೆದಾರರಿಗೆ ಬಿಡುಗಡೆ ಮಾಡಿರುವ ಅನುದಾನವೆಷ್ಟು; (ಕಾಮಗಾರಿವಾರು ವಿವರ ನೀಡುವುದು)

(ಆ) ಕಳೆದ 3 ವರ್ಷಗಳಲ್ಲಿ ಲೋಕೋಪಯೋಗಿ ಇಲಾಖೆಯಿಂದ ಹಾಸನ ಜಿಲ್ಲೆಯಲ್ಲಿ ಎಸ್‌ಸಿಪಿ/ಟಿಎಸ್‌ಪಿ ಯೋಜನೆಯಡಿ ಕೈಗೊಂಡಿರುವ ಕಾಮಗಾರಿಗಳು ಯಾವುವು; ಈ ಕಾಮಗಾರಿಗಳು ಯಾವ ಹಂತದಲ್ಲಿವೆ; ಈ ಕಾಮಗಾರಿಗಳಿಗಾಗಿ ಮಂಜೂರಾದ ಹಾಗೂ ಬಿಡುಗಡೆಯಾಗಿರುವ ಅನುದಾನವೆಷ್ಟು; ಇದರಲ್ಲಿ ಗುತ್ತಿಗೆದಾರರಿಗೆ ಬಿಡುಗಡೆ ಮಾಡಿರುವ ಅನುದಾನವೆಷ್ಟು; (ಕಾಮಗಾರಿವಾರು ವಿವರ ನೀಡುವುದು)

(ಇ) ಲೋಕೋಪಯೋಗಿ ಇಲಾಖೆಯಿಂದ ಹಾಸನ ಜಿಲ್ಲೆಯಲ್ಲಿ ಕೈಗೊಂಡಿರುವ ಹಲವಾರು ಕಾಮಗಾರಿಗಳನ್ನು ಪೂರ್ಣಗೊಳಿಸದಿದ್ದರೂ ಕೂಡ, ಕಾಮಗಾರಿಗಳನ್ನು ಮಾಡಲಾಗಿದೆ ಎಂದು ದಾಖಲೆಗಳನ್ನು ಸೃಷ್ಟಿಸಿ ಗುತ್ತಿಗೆದಾರರಿಗೆ ಬಿಲ್ ಪಾವತಿ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಈ ಸಂಬಂಧ ಕೈಗೊಂಡಿರುವ ಕ್ರಮಗಳೇನು? (ಪ್ರಕರಣವಾರು ವಿವರ ನೀಡುವುದು)